ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 06 ನೇ ಮಾರ್ಚ್, 2020

ಮುಧೋಳ ತಾಲ್ಲೂಕಿನ ರಾಜ್ಯ ರಸ್ತೆ ಸಾರಿಗೆ ಬಸ್ ನಿಲ್ದಾಣದ ಬಗ್ಗೆ

ಶ್ರೀ ಆರ್. ಬಿ. ತಿಮ್ಮಾಪೂರ (ವಿಧಾನ ಸಭೆಯಿಂದ ಚುನಾಯಿತರಾದವರು):-

353 (361) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಸಾರಿಗೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಮುಧೋಳ ತಾಲ್ಲೂಕಿನ ಕರ್ನಾಟಕ ರಾಜ್ಯ ರಸ್ತೆ ಸಾರಿಗೆ ನಿಗಮದ ಬಸ್ ನಿಲ್ದಾಣ ನಿರ್ಮಾಣಗೊಂಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಬಂದಿದಲ್ಲಿ, ಇದುವರೆಗೆ ಬಸ್ ನಿಲ್ದಾಣ ಕಾಮಗಾರಿ ಮುಕ್ತಾಯಗೊಂಡಿದ್ದರೂ ಉದ್ಘಾಟನೆ ಆಗದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಇ) ಬಸ್ ನಿಲ್ದಾಣದ ಮುಂಭಾಗದಲ್ಲಿ ರಸ್ತೆ ಡಾಂಬರೀಕರಣವಾಗದೆ ಇದ್ದು, ಧೂಳಿನಿಂದ ರಸ್ತೆ ಅವೃತ್ತವಾಗಿ ಸಾರ್ವಜನಿಕರಿಗೆ ತೊಂದರೆಯುಂಟಾಗಿರುವುದು ಸರ್ಕಾರಕ್ಕೆ ತಿಳಿದಿದೆಯೇ; ತಿಳಿದಿದ್ದಲ್ಲಿ, ಇದರ ಪರಿಹಾರಕ್ಕಾಗಿ ಸರ್ಕಾರವು ಕೈಗೊಂಡಿರುವ ನಿರ್ದಿಷ್ಟ ಕ್ರಮಗಳೇನು?